# ಕರ್ನಾಟಕ ವಿಧಾನ ಪರಿಷತ್ತು

| | |
|---|---|
| ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ | 1420 |
| ಮಾನ್ಯ ಸದಸ್ಯರ ಹೆಸರು | ಶ್ರೀ ಆರ್. ಪ್ರಸನ್ನ ಕುಮಾರ್ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ) |
| ಉತ್ತರಿಸಬೇಕಾದ ದಿನಾಂಕ | 23.09.2021 |
| ಉತ್ತರಿಸಬೇಕಾದವರು | ಅಬಕಾರಿ ಸಚಿವರು |

| ಕ್ರ ಸಂ | ಪ್ರಶ್ನೆ | ಉತ್ತರ |
|---|---|---|
| ಅ) | 2018-19 ರಿಂದ 2020-21ನೇ ಸಾಲಿನವರೆಗೆ ಕಳ್ಳಭಟ್ಟಿ ಅಕ್ರಮ ಮದ್ಯ ಮಾರಾಟ ಸಂಬಂಧ ದಾಖಲಾಗಿರುವ ಪ್ರಕರಣಗಳು ಎಷ್ಟು; | 2018-19 ರಿಂದ 2020-21ನೇ ಸಾಲಿನವರೆಗೆ ರಾಜ್ಯ ವ್ಯಾಪ್ತಿ ಕಳ್ಳಭಟ್ಟಿ ಹಾಗೂ ಅಕ್ರಮ ಮದ್ಯ ಮಾರಾಟ ಸಂಬಂಧ ದಾಖಲಿಸಿರುವ ಪ್ರಕರಣಗಳ ವಿವರ ಕೆಳಕಂಡಂತಿದೆ; |
| ಆ) | ಮದ್ಯದ ಅಂಗಡಿಗಳಲ್ಲಿ ದೊಡ್ಡ ಬ್ರ್ಯಾಂಡ್ ಮದ್ಯಗಳಿಗೆ ಕಡಿಮೆ ಬೆಲೆಯ ಮದ್ಯ ಮಿಶ್ರಣ ಮಾಡಿ ಮಾರಾಟ ಮಾಡುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ: | ಕೆಲವೊಂದು ಸನ್ನದು ಮದ್ಯದ ಮಳಿಗೆಗಳಲ್ಲಿ ಕಡಿಮೆ ಬೆಲೆಯ ಮದ್ಯವನ್ನು ಹೆಚ್ಚಿನ ಬೆಲೆಯ ಮದ್ಯದ ಬಾಟಲುಗಳಿಗೆ ಮಿಶ್ರಣ ಮಾಡಿ ಗ್ರಾಹಕರಿಗೆ ಮಾರಾಟ ಮಾಡುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆ. |
| ಇ) | ಗ್ರಾಮೀಣ ಭಾಗದ ಚಿಲ್ಲರೆ ಅಂಗಡಿ ಹಾಗೂ ಹೆದ್ದಾರಿಯ ಪಕ್ಕದ ಡಾಬಾಗಳಲ್ಲಿ ಲೈಸನ್ಸ್ ಇಲ್ಲದೆ ಮದ್ಯ ಮಾರಾಟ ಮಾಡುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ: ಬಂದಿದ್ದಲ್ಲಿ, ಕೈಗೊಂಡಿರುವ ಕ್ರಮಗಳೇನು? | ರಾಜ್ಯದ ಗ್ರಾಮೀಣ ಭಾಗದಲ್ಲಿ ಕೆಲವು ವ್ಯಕ್ತಿಗಳು ಸ್ವಲಾಭಕ್ಕಾಗಿ ಅನಧಿಕೃತ ಸ್ಥಳದಲ್ಲಿ ಸೇವನೆಗಾಗಿ ಅಕ್ರಮವಾಗಿ ಮದ್ಯ ಮಾರಾಟ ಮಾಡುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆ.<br>ಅಕ್ರಮ ಮದ್ಯ ಮಾರಾಟವನ್ನು ತಡೆಗಟ್ಟಲು ಅಬಕಾರಿ ಕಾಯ್ದೆ ಮತ್ತು ತತ್ಸಂಬಂಧ ನಿಯಮಗಳ ಜಾರಿಗೊಳಿಸುವಿಕೆ ಕ್ರಮಗಳನ್ನು ಚುರುಕುಗೊಳಿಸಲಾಗಿದೆ. ಅಲ್ಲದೆ ಈ ಕುರಿತು |

| ಅಬಕಾರಿ ವರ್ಷ | ದಾಖಲಿಸಿರುವ ಪ್ರಕರಣಗಳ ಸಂಖ್ಯೆ | |
|---|---|---|
| | ಕಳ್ಳಭಟ್ಟಿ | ಅಕ್ರಮ ಮದ್ಯ ಮಾರಾಟ |
| 2018-19 | 626 | 27615 |
| 2019-20 | 1239 | 18377 |
| 2020-21 | 623 | 22299 |
| **ಒಟ್ಟು** | **2488** | **68291** |

| | | |
|---|---|---|
| | | ಪೊಲೀಸ್ ಇಲಾಖೆಯೂ ಸಹ ನಿರಂತರ ಕಾರ್ಯಾಚರಣೆ ನಡೆಸುತ್ತಿದ್ದು, ಜಿಲ್ಲಾಧಿಕಾರಿಗಳ ನೇತೃತ್ವದಲ್ಲಿ 2 ತಿಂಗಳಿಗೊಮ್ಮೆ ನಡೆಯುವ ಸಮನ್ವಯ ಸಮಿತಿ ಸಭೆಯಲ್ಲೂ ಅಬಕಾರಿ ಅಕ್ರಮ ಕುರಿತು ಅಗತ್ಯ ನಿರ್ದೇಶನಗಳನ್ನು ನೀಡಲಾಗುತ್ತಿದೆ. ಅಬಕಾರಿ ಇಲಾಖೆಯ ಸಿಬ್ಬಂದಿಯು ಸದಾ ಕಾಲ ಜಾಗೃತರಾಗಿದ್ದು ನಿರಂತರ ದಾಳಿ ಕಾರ್ಯ ನಡೆಸಿ, ಅಕ್ರಮ ಮದ್ಯ ಮಾರಾಟವಾಗದಂತೆ ಎಚ್ಚರಿಕೆ ವಹಿಸುವಂತೆ ನಿರ್ದೇಶಿಸಲಾಗಿದೆ. |

ಆಇ 103 ಇಎಲ್‌ಕ್ಯೂ 2021

(ಕೆ. ಗೋಪಾಲಯ್ಯ)
ಅಬಕಾರಿ ಸಚಿವರು